ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 20 ನೇ ಮಾರ್ಚ್, 2020

ಸಾಂಸ್ಕೃತಿಕ ಕಾರ್ಯಕ್ರಮಗಳಿಗೆ ಅನುದಾನ ನೀಡುವ ಕುರಿತು

ಶ್ರೀ ಎನ್. ರವಿಕುಮಾರ್(ವಿಧಾನಸಭೆಯಿಂದ ಚುನಾಯಿತರಾದವರು):-

1408 (1587) ಮಾನ್ಯ ಪ್ರವಾಸೋದ್ಯಮ, ಕನ್ನಡ ಮತ್ತು ಸಂಸ್ಕೃತಿ ಹಾಗೂ ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಕಳೆದ ಐದು ವರ್ಷಗಳಲ್ಲಿ ಸಾಂಸ್ಕೃತಿಕ ಕಾರ್ಯಕ್ರಮಗಳಿಗಾಗಿ ಸಂಘ ಸಂಸ್ಥೆಗಳಿಗೆ ಬಿಡುಗಡೆಗೊಳಿಸಿದ ಅನುದಾನದ ಮೊತ್ತವೆಷ್ಟು; (ಸಂಘ ಸಂಸ್ಥೆಗಳ ಹೆಸರಿನೊಂದಿಗೆ ಜಿಲ್ಲಾವಾರು ಮಾಹಿತಿ ನೀಡುವುದು)

(ಆ) ಸಾಂಸ್ಕೃತಿಕ ಸಂಘ ಸಂಸ್ಥೆಗಳಿಗೆ ಅನುದಾನ ನೀಡಲು ಇರುವ ನಿಯಮಗಳೇನು; ಒಂದು ವರ್ಷದಲ್ಲಿ ಒಂದು ಸಂಸ್ಥೆಗೆ ಗರಿಷ್ಠ ಎಷ್ಟು ಮೊತ್ತವನ್ನು ಅನುದಾನವೆಂದು ನೀಡಬಹುದು; ಒಂದು ವರ್ಷದಲ್ಲಿ ಒಂದು ಸಂಸ್ಥೆಗೆ ಎಷ್ಟು ಕಾರ್ಯಕ್ರಮಗಳಿಗೆ ಅನುದಾನ ನೀಡಬಹುದು? (ವಿವರ ನೀಡುವುದು)